


# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 15-03-2021 ಪ್ರಶ್ನೆ ಸಂಖ್ಯೆ : 964(1313)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಚಿದಾನಂದ್ ಎಂ. ಗೌಡ(ಪದವೀಧರರ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 15-03-2021

ಉತ್ತರಿಸುವ ಸಚಿವರು: ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು

ವಿಷಯ : ವಿಜ್ಞಾನ ವಿಭಾಗದ ವಿದ್ಯಾರ್ಥಿಗಳಿಗೆ ತರಬೇತಿ ನೀಡುವ ಬಗ್ಗೆ

(ಅ) ಕರ್ನಾಟಕ ರಾಜ್ಯದಲ್ಲಿ ಕಳೆದ 4 ವರ್ಷಗಳಿಂದ ಪದವಿ ಪೂರ್ವ ಶಿಕ್ಷಣ ಇಲಾಖೆ ಅಡಿಯಲ್ಲಿ ಸರ್ಕಾರಿ/ಖಾಸಗಿ /ಅನುದಾನಿತ/ಅನುದಾನ ರಹಿತ ಕಾಲೇಜುಗಳಲ್ಲಿ ವಿಜ್ಞಾನ ವಿಭಾಗದಲ್ಲಿ ವ್ಯಾಸಂಗ ಮಾಡುತ್ತಿರುವ ವಿದ್ಯಾರ್ಥಿಗಳ ಸಂಖ್ಯೆ ಎಷ್ಟು;

(ಆ) ಸರ್ಕಾರಿ/ಖಾಸಗಿ/ಅನುದಾನಿತ/ಅನುದಾನ ರಹಿತ ಕಾಲೇಜುಗಳಲ್ಲಿ ವಿಜ್ಞಾನ ವಿಭಾಗದಲ್ಲಿ ವ್ಯಾಸಂಗ ಮಾಡಿ ಸಿ.ಇ.ಟಿ., ನೀಟ್, ಜೆ.ಇ.ಇ., ಐಐಟಿ, ಪರೀಕ್ಷೆಗಳಿಗೆ ಹಾಜರಾಗಿ ಸರ್ಕಾರಿ ಖೋಟಾದಡಿಯಲ್ಲಿ ಪ್ರವೇಶ ಪಡೆದ ವಿದ್ಯಾರ್ಥಿಗಳ ಸಂಖ್ಯೆ ಎಷ್ಟು; (ಮಾಹಿತಿ ನೀಡುವುದು)

(ಇ) ಖಾಸಗಿ/ಅನುದಾನಿತ/ಅನುದಾನ ರಹಿತ ಪದವಿ ಪೂರ್ವ ಕಾಲೇಜುಗಳಲ್ಲಿ ವಿಜ್ಞಾನ ವಿಭಾಗದಲ್ಲಿ ವ್ಯಾಸಂಗ ಮಾಡುತ್ತಿದ್ದ ವಿದ್ಯಾರ್ಥಿಗಳು, ಸರ್ಕಾರಿ ಪದವಿ ಪೂರ್ವ ಕಾಲೇಜುಗಳಲ್ಲಿ ವಿಜ್ಞಾನ ವಿಭಾಗದಲ್ಲಿ ಅಧ್ಯಯನ ಮಾಡುತ್ತಿರುವ ವಿದ್ಯಾರ್ಥಿಗಳಿಗಿಂತ ಹೆಚ್ಚಿನ ಪ್ರಮಾಣದಲ್ಲಿ ಪರೀಕ್ಷೆಗಳಲ್ಲಿ ಉತ್ತಮ ಫಲಿತಾಂಶ ಪಡೆದಿದ್ದಾರೆ ಎಂಬುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಈ) ಸರ್ಕಾರಿ ಪದವಿ ಪೂರ್ವ ಕಾಲೇಜುಗಳಲ್ಲಿ ವಿಜ್ಞಾನ ವಿಭಾಗದಲ್ಲಿ ವ್ಯಾಸಂಗ ಮಾಡುತ್ತಿರುವ ವಿದ್ಯಾರ್ಥಿಗಳಿಗೆ ಭವಿಷ್ಯದಲ್ಲಾದರೂ ವಿಶೇಷ ತರಬೇತಿಯನ್ನು ಖಾಸಗಿ/ಅನುದಾನಿತ/ಅನುದಾನ ರಹಿತ ಶಿಕ್ಷಣ ಸಂಸ್ಥೆಗಳ ರೀತಿಯಲ್ಲಿ ತರಬೇತಿ ನೀಡಿ, ಸರ್ಕಾರಿ ಪದವಿ ಪೂರ್ವ ಕಾಲೇಜು ವಿಜ್ಞಾನ ವಿಭಾಗದ ವಿದ್ಯಾರ್ಥಿಗಳನ್ನು ಸಿ.ಇ.ಟಿ., ನೀಟ್, ಜೆ.ಇ.ಇ., ಐಐಟಿ, ಈ ಪರೀಕ್ಷೆಗಳಲ್ಲಿ ಹೆಚ್ಚಿನ ಅಂಕಗಳನ್ನು ಪಡೆಯಲು ಅಗತ್ಯ ಕಾರ್ಯಕ್ರಮಗಳನ್ನು ಕೈಗೊಳ್ಳುವ ಯೋಜನೆ ಸರ್ಕಾರದ ಮುಂದಿದೆಯೇ?